

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 2168
ಸದಸ್ಯರ ಹೆಸರು : ಶ್ರೀ ಶಶೀಲ್ ಜಿ. ನಮೋಶಿ
ಉತ್ತರಿಸುವ ದಿನಾಂಕ : 18-03-2022
ಉತ್ತರಿಸುವ ಸಚಿವರು : ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕರ್ನಾಟಕ ವಸತಿ ಸಂಸ್ಥೆಗಳ ಸಂಘದಡಿ ಕಾರ್ಯನಿರ್ವಹಿಸುತ್ತಿರುವ ಬೋಧಕ/ ಬೋಧಕೇತರರಿಗೆ ಜ್ಯೋತಿ ಸಂಜೀವಿನಿ ಯೋಜನೆಯನ್ನು ಒದಗಿಸುವ ಸರ್ಕಾರದ ಗಮನಕ್ಕೆ ಬಂದಿದೆಯೇ; | ಹೌದು. |
| ಆ) | ಬಂದಿದ್ದಲ್ಲಿ, ಈ ಬಗ್ಗೆ ಸರ್ಕಾರ ತೆಗೆದುಕೊಂಡ ಕ್ರಮಗಳೇನು; | ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯು ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ಖಾಯಂ ನೌಕರರು ಮತ್ತು ಅವರ ಅವಲಂಭಿತರಿಗೆ ಜ್ಯೋತಿ ಸಂಜೀವಿನಿ ಯೋಜನೆಯನ್ನು ಅಳವಡಿಸಲು ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ ಮುಖಾಂತರ ಸುವರ್ಣ ಆರೋಗ್ಯ ಸುರಕ್ಷಾ ಟ್ರಸ್ಟ್ ನೊಂದಿಗೆ ಸಮಾಲೋಚಿಸಿ ಯೋಜನೆಯನ್ನು ವಿಸ್ತರಿಸುವಂತೆ ಅಭಿಪ್ರಾಯ ನೀಡಿದೆ. ಅದರಂತೆ, ಕಾರ್ಯನಿರ್ವಾಹಕ ನಿರ್ದೇಶಕರು, ಸುವರ್ಣ ಆರೋಗ್ಯ ಸುರಕ್ಷಾ ಟ್ರಸ್ಟ್ ರವರು ಸಂಘದ ನೌಕರರಿಗೆ ಜ್ಯೋತಿ ಸಂಜೀವಿನಿ ಯೋಜನೆಯನ್ನು ವಿಸ್ತರಿಸಲು ಷರತ್ತುಗಳಿಗೆ ಒಳಪಟ್ಟು ತಾತ್ವಿಕ ಒಪ್ಪಿಗೆ ನೀಡಿರುತ್ತಾರೆ. ಅದರಂತೆ, ಈಗಾಗಲೇ ಕರ್ನಾಟಕ ವಸತಿ ಶಿಕ್ಷಣ ಸಂಸ್ಥೆಗಳ ಸಂಘದ ವಸತಿ ಶಾಲೆ/ ಕಾಲೇಜುಗಳ ಸಿಬ್ಬಂದಿಗಳು ಮತ್ತು ಅವರ ಅವಲಂಬಿತರ ಹೆಸರು, ವಯಸ್ಸು, ಆಧಾರ್, Bio metric finger impression/IRIS, ವಿಳಾಸ ಇತ್ಯಾದಿ ವಿವರಗಳನ್ನು ಸಂಘದ ಹೆಚ್.ಆರ್.ಎಂ.ಎಸ್ ತಂತ್ರಾಂಶದಲ್ಲಿ ನಮೂದಿಸಲು ಪ್ರಾಂಶುಪಾಲರುಗಳಿಗೆ ಸೂಚಿಸಲಾಗಿರುತ್ತದೆ. ಆದರೆ, ಪ್ರಸ್ತುತ ಲಭ್ಯವಿರುವ ಹೆಚ್.ಆರ್.ಎಮ್.ಎಸ್ ತಂತ್ರಾಂಶದಲ್ಲಿ ಮೇಲ್ಕಂಡ ಮಾಹಿತಿಯನ್ನು ನಮೂದಿಸಲು ತಾಂತ್ರಿಕ ತೊಂದರೆಗಳು |
| ಇ) | ಈ ಬಗ್ಗೆ ಪ್ರಸ್ತಾವನೆಯು ಯಾವ ಹಂತದಲ್ಲಿದೆ; ಯಾವ ಕಾಲಮಿತಿಯೊಳಗೆ ಈ ನೌಕರರಿಗೆ ಈ ಯೋಜನೆಯನ್ನು ಜಾರಿಗೊಳಿಸಲಾಗುವುದು/ (ಪ್ರಸ್ತಾವನೆಯ ಸಂಪೂರ್ಣ ವಿವರವನ್ನು ಒದಗಿಸುವುದು) | |

| | | |
|---|---|---|
| | | ಇರುವುದಾಗಿ ವಸತಿ ಶಾಲೆಗಳ ಪ್ರಾಂಶುಪಾಲರು ತಿಳಿಸಿರುತ್ತಾರೆ. ಈ ಹಿನ್ನೆಲೆಯಲ್ಲಿ ತಾಂತ್ರಿಕ ದೋಷವನ್ನು ಸರಿಪಡಿಸುವಂತೆ ಯೋಜನಾ ನಿರ್ದೇಶಕರು, ಹೆಚ್.ಆರ್.ಎಮ್.ಎಸ್. ಸೆಲ್ ರವರಿಗೆ ಈಗಾಗಲೇ ಪತ್ರ ಬರೆಯಲಾಗಿದೆ. ತಂತ್ರಾಂಶವನ್ನು ಉನ್ನತೀಕರಿಸುವ ಪ್ರಕ್ರಿಯೆಗೆ ಸಮಯಾವಕಾಶದ ಅವಶ್ಯಕತೆ ಇರುವುದಾಗಿ ತಿಳಿಸಿರುತ್ತಾರೆ. ಆದ್ದರಿಂದ ಹೆಚ್.ಆರ್.ಎಮ್.ಎಸ್. ಸೆಲ್ ವತಿಯಿಂದ ತಾಂತ್ರಿಕ ದೋಷ ಬಗೆಹರಿಯುವವರೆಗೆ ತಾತ್ಕಾಲಿಕವಾಗಿ ದೃಢೀಕೃತ ದಾಖಲೆಗಳ (Manual Documents) ಆಧಾರದ ಮೇಲೆ ಸಂಘದ ಸಿಬ್ಬಂದಿಗಳಿಗೆ ಯೋಜನೆಯನ್ನು ಪ್ರಾರಂಭಿಸಲು ಕಾರ್ಯನಿರ್ವಾಹಕ ನಿರ್ದೇಶಕರು ಸುವರ್ಣ ಆರೋಗ್ಯ ಸುರಕ್ಷಾ ಟ್ರಸ್ಟ್ ರವರಿಗೆ ಪತ್ರದ ಮೂಲಕ ಕೋರಲಾಗಿರುತ್ತದೆ. ಇದಕ್ಕೆ ಸದರಿಯವರು ಒಪ್ಪಿದಲ್ಲಿ, ಸಂಘದ ಖಾಯಂ ನೌಕರರಿಗೆ ಜ್ಯೋತಿ ಸಂಜೀವಿನಿ ಯೋಜನೆಯನ್ನು ಅನುಷ್ಠಾನಗೊಳಿಸಲು ಮುಂದಿನ ಕ್ರಮವಹಿಸಲಾಗುವುದು.<br>ಆದ್ದರಿಂದ ಹೆಚ್.ಆರ್.ಎಮ್.ಎಸ್. ಸೆಲ್ ವತಿಯಿಂದ ತಾಂತ್ರಿಕದೋಷ ಬಗೆಹರಿಯುವವರೆಗೆ ತಾತ್ಕಾಲಿಕವಾಗಿ ದೃಢೀಕೃತ ದಾಖಲೆಗಳ (Manual Documents) ಆಧಾರದ ಮೇಲೆ ಸಂಘದ ಸಿಬ್ಬಂದಿಗಳಿಗೆ ಯೋಜನೆಯನ್ನು ಪ್ರಾರಂಭಿಸಲು ಕಾರ್ಯನಿರ್ವಾಹಕ ನಿರ್ದೇಶಕರು ಸುವರ್ಣ ಆರೋಗ್ಯ ಸುರಕ್ಷಾ ಟ್ರಸ್ಟ್ ರವರಿಗೆ ಪತ್ರದ ಮೂಲಕ ಕೋರಲಾಗಿರುತ್ತದೆ.<br><br>ಕಾರ್ಯನಿರ್ವಾಹಕ ನಿರ್ದೇಶಕರು, ಸುವರ್ಣ ಆರೋಗ್ಯ ಸುರಕ್ಷಾ ಟ್ರಸ್ಟ್ ರವರು ದಿನಾಂಕ: 06.12.2021 ರ ಪತ್ರದಲ್ಲಿ ಸಂಘದ ಖಾಯಂ ನೌಕರರು & ಅವರ ಅವಲಂಬಿತರಿಗೆ ಜ್ಯೋತಿ ಸಂಜೀವಿನಿ ಯೋಜನೆಯನ್ನು ವಿಸ್ತರಿಸಲು ತಾತ್ಕಾಲಿಕವಾಗಿ ದೃಢೀಕೃತ ದಾಖಲೆಗಳ ((Manual Documents)) ಆಧಾರದ ಮೇಲೆ ಪರಿಗಣಿಸುವುದಿಲ್ಲ. ಆದ್ದರಿಂದ ಹೆಚ್.ಆರ್.ಎಮ್.ಎಸ್ ತಂತ್ರಾಂಶದಲ್ಲಿ ಸಿಬ್ಬಂದಿಗಳ ವಿವರಗಳು ಲಭ್ಯವಾದ ನಂತರ ಯೋಜನೆಯ ಪ್ರಯೋಜನ |

| | | |
|---|---|---|
| | | ಪಡೆಯಬಹುದಾಗಿರುತ್ತದೆ ಎಂದು ತಿಳಿಸಿರುತ್ತಾರೆ. ಈ ಎಲ್ಲಾ ಅಂಶಗಳನ್ನು ಒಳಗೊಂಡಂತೆ ಯೋಜನಾ ನಿರ್ದೇಶಕರು, ಹೆಚ್.ಆರ್.ಎಮ್.ಎಸ್. ಸೆಲ್ ರವರಿಗೆ ಪತ್ರ ಬರೆಯಲಾಗಿದ್ದು, ಹೆಚ್.ಆರ್.ಎಮ್.ಎಸ್ ತಾಂತ್ರಿಕ ದೋಷವನ್ನು ಸರಿಪಡಿಸಿದ ನಂತರ ಯೋಜನೆಯನ್ನು ವಿಸ್ತರಿಸಲಾಗುವುದು. |

ಸಕಇ 176 ಮೊದೇಶಾ 2022

(ಕೋಟ ಶ್ರೀನಿವಾಸ ಪೂಜಾರಿ)
ಸಮಾಜ ಕಲ್ಯಾಣ ಮತ್ತು
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು .